# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | 1269 (1421) |
| ಸದಸ್ಯರ ಹೆಸರು | ಶ್ರೀಮತಿ ಎಸ್ ವೀಣಾ ಅಚ್ಚಯ್ಯ |
| ಉತ್ತರಿಸುವ ದಿನಾಂಕ | 17-03-2021 |
| ಉತ್ತರಿಸುವವರು | ಹಿಂದೂ ಧಾರ್ಮಿಕ ಮತ್ತು ಧರ್ಮಾದಾಯ ದತ್ತಿ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು |

| | ಪ್ರಶ್ನೆ | ಉತ್ತರ |
|---|---|---|
| ಅ) | ಕೊಡಗಿನ ಪುಣ್ಯ ಕ್ಷೇತ್ರಗಳಾದ ತಲಕಾವೇರಿ ಹಾಗೂ ಭಾಗಮಂಡಲ ದೇವಸ್ಥಾನಗಳಲ್ಲಿ ಮೂಲಭೂತ ಸೌಕರ್ಯ ಹಾಗೂ ಅಭಿವೃದ್ಧಿ ಕಾರ್ಯಗಳಿಗೆ ಅನುದಾನದ ಕೊರತೆಯಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ? | ಕೊಡಗಿನ ಪುಣ್ಯ ಕ್ಷೇತ್ರಗಳಾದ ತಲಕಾವೇರಿ ಹಾಗೂ ಭಾಗಮಂಡಲ ದೇವಸ್ಥಾನಗಳಲ್ಲಿ ಮೂಲಭೂತ ಸೌಕರ್ಯ ಹಾಗೂ ಅಭಿವೃದ್ಧಿ ಕಾರ್ಯಗಳಿಗೆ ಅನುದಾನದ ಕೊರತೆಯಿರುವುದು ಸರ್ಕಾರದ ಗಮನಕ್ಕೆ ಬಂದಿರುತ್ತದೆ. |
| ಆ) | ಬಂದಿದ್ದಲ್ಲಿ, ಕಳೆದ ಮೂರು ವರ್ಷಗಳಲ್ಲಿ ಸದರಿ ದೇವಸ್ಥಾನಗಳಿಗೆ ಸರ್ಕಾರದಿಂದ ದೊರೆತಿರುವ ಅನುದಾನವೆಷ್ಟು ಹಾಗೂ ಕೈಗೊಂಡಿರುವ ಮೂಲಭೂತ ಸೌಕರ್ಯ ಹಾಗೂ ಅಭಿವೃದ್ಧಿ ಕಾರ್ಯಗಳು ಯಾವುವು? | ರಾಜ್ಯ ಸರ್ಕಾರದಿಂದ ಕಳೆದ ಮೂರು ವರ್ಷಗಳಲ್ಲಿ ಸದರಿ ದೇವಸ್ಥಾನಗಳಿಗೆ ಯಾವುದೇ ಅನುದಾನ ಬಿಡುಗಡೆಯಾಗಿರುವುದಿಲ್ಲ.<br><br>ಆದರೆ ಬೃಹತ್ ಬೆಂಗಳೂರು ಮಹಾನಗರ ಪಾಲಿಕೆಯು ನೀಡಿರುವ ದೇಣಿಗೆ ಮೊತ್ತ ರೂ.1.00ಕೋಟಿ ಹಣದಲ್ಲಿ ಶ್ರೀ ಭಗಂಡೇಶ್ವರ ಮತ್ತು ತಲಕಾವೇರಿ ದೇವಾಲಯದ ಅಭಿವೃದ್ಧಿಗೆ ದೇವಾಲಯದ ವ್ಯವಸ್ಥಾಪನಾ ಸಮಿತಿ ಸಭೆಯಲ್ಲಿ ಈ ಹಣವನ್ನು ಬಳಕೆ ಮಾಡಿಕೊಳ್ಳಲು ಕ್ರಿಯಾ ಯೋಜನೆ ರೂಪಿಸಲಾಗಿದೆ.<br><br>ಕೊಡಗು ನಿರ್ಮಿತಿ ಕೇಂದ್ರ, ಮಡಿಕೇರಿ ಇವರಿಂದ ರೂ.1.00ಕೋಟಿ ವೆಚ್ಚದ ಕಾಮಗಾರಿಗಳ ಅಂದಾಜು ಪಟ್ಟಿ ಕ್ರಿಯಾ ಯೋಜನೆಗೆ ಧಾರ್ಮಿಕ ದತ್ತಿ ಆಯುಕ್ತರು, ಪತ್ರ ಸಂಖ್ಯೆ: ಸಿಎನ್‌ಆರ್-1/ಸಿಆರ್/23/2020-21 ದಿನಾಂಕ: 16-12-2020ರಲ್ಲಿ ಆಡಳಿತಾತ್ಮಕ ಅನುಮೋದನೆ ನೀಡಿರುತ್ತಾರೆ. ಅದರನ್ವಯ ಕ್ರಮ ವಹಿಸಲಾಗುತ್ತಿದೆ.<br><br>ಉದ್ದೇಶಿತ ಕ್ರಿಯಾಯೋಜನೆಯ ಕಾಮಗಾರಿಗಳ ವಿವರ ಅನುಬಂಧದಲ್ಲಿ ಒದಗಿಸಿದೆ. |

.....2

| | | |
|---|---|---|
| | ಮುಂದಿನ ಆರ್ಥಿಕ ವರ್ಷದಲ್ಲಿ ಕೊಡಗಿನ ಪುಣ್ಯ ಕ್ಷೇತ್ರಗಳಾದ ತಲಕಾವೇರಿ ಹಾಗೂ ಭಾಗಮಂಡಲ ದೇವಸ್ಥಾನಗಳಿಗೆ ಮೂಲಭೂತ ಸೌಕರ್ಯ ಕಲ್ಪಿಸಲು ಹಾಗೂ ಅಭಿವೃದ್ಧಿ ಕಾರ್ಯಗಳನ್ನು ಕೈಗೊಳ್ಳಲು ವಿಶೇಷ ಅನುದಾನವನ್ನು ಒದಗಿಸಲು ಸರ್ಕಾರ ಕ್ರಮ ವಹಿಸುವುದೇ? | 2021-22ನೇ ಆರ್ಥಿಕ ಸಾಲಿನಲ್ಲಿ ಕೊಡಗಿನ ಪುಣ್ಯ ಕ್ಷೇತ್ರಗಳಾದ ತಲಕಾವೇರಿ ಹಾಗೂ ಭಾಗಮಂಡಲ ದೇವಸ್ಥಾನಗಳಿಗೆ ಮೂಲಭೂತ ಸೌಕರ್ಯ ಕಲ್ಪಿಸಲು ಹಾಗೂ ಅಭಿವೃದ್ಧಿ ಕಾರ್ಯಗಳನ್ನು ಕೈಗೊಳ್ಳಲು ವಿಶೇಷ ಅನುದಾನವನ್ನು ಒದಗಿಸುವಂತೆ ಪ್ರಸ್ತಾವನೆಯು ಸ್ವೀಕೃತವಾದ್ದಲ್ಲಿ, ಅನುದಾನದ ಲಭ್ಯತೆಗನುಸಾರವಾಗಿ ರಾಜ್ಯದಲ್ಲಿನ ಅನುದಾನದ ಬೇಡಿಕೆ ಪ್ರಸ್ತಾವನೆಗಳನ್ನಾಧರಿಸಿ, ನಿಯಮಾನುಸಾರ ಪರಿಶೀಲಿಸಲಾಗುವುದು. |

ಸಂಖ್ಯೆ: ಕಂಇ 73 ಮುಸಪ್ರ 2021

(ಕೋಟಾ ಶ್ರೀನಿವಾಸ ಪೂಜಾರಿ)
ಹಿಂದೂ ಧಾರ್ಮಿಕ ಮತ್ತು ಧರ್ಮಾದಾಯ ದತ್ತಿ
ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು.